ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಶುಕ್ರವಾರ, ದಿನಾಂಕ 19ನೇ ಜುಲೈ, 2019

ಬೆಳಗಾವಿ ಮಹಾನಗರ ಪಾಲಿಕೆ ಹಾಗೂ ನಗರ ಸಭೆಯ ಪೌರಕಾರ್ಮಿಕರು ವಸತಿ ಸೌಲಭ್ಯದಿಂದ ವಂಚಿತರಾಗಿರುವ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

378 (430) ಮಾನ್ಯ ನಗರಾಭಿವೃದ್ಧಿ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯದ ಬಹುತೇಕ ಮಹಾನಗರ ಪಾಲಿಕೆ ಹಾಗೂ ನಗರ ಸಭೆಗಳಲ್ಲಿ ಪೌರ ಕಾರ್ಮಿಕರಿಗೆ ಖಾಯಂ ಮನೆ ನೀಡಿದ್ದರೂ, ಬೆಳಗಾವಿ ಪೌರಕಾರ್ಮಿಕರು ಈ ಸೌಲಭ್ಯದಿಂದ ವಂಚಿತರಾಗಿರುವುದು ನಿಜವೇ ;

(ಆ) ಸುಮಾರು 5 ಲಕ್ಷಕ್ಕೂ ಅಧಿಕ ಜನಸಂಖ್ಯೆ ಇರುವ ಬೆಳಗಾವಿ ವ್ಯಾಪ್ತಿಯಲ್ಲಿ ಇರುವ ಪೌರಕಾರ್ಮಿಕರ ಸಂಖ್ಯೆ ಎಷ್ಟು ;

(ಇ) ಈ ಪಾಲಿಕೆ ವ್ಯಾಪ್ತಿಯಲ್ಲಿ ಪೌರ ಕಾರ್ಮಿಕರ ವಸತಿಗಾಗಿ ಎಷ್ಟು ವಸತಿ ಗೃಹಗಳಿವೇ; ಈ ವಸತಿ ಗೃಹಗಳಲ್ಲಿ ಎಷ್ಟು ಜನ ಪೌರ ಕಾರ್ಮಿಕರಿಗೆ ಹಂಚಿಕೆ ಮಾಡಲಾಗಿದೆ; ಈ ವಸತಿ ಗೃಹಗಳಲ್ಲಿ ವಾಸಿಸುತ್ತಿರುವ ಪೌರ ಕಾರ್ಮಿಕರ ಸಂಖ್ಯೆ ಎಷ್ಟು ;

(ಈ) ಹಲವಾರು ವಸತಿ ನಿಲಯಗಳು ಖಾಲಿ ಇರುವುದಾಗಿ ವರದಿಯಾಗಿದ್ದು, ಇದಕ್ಕೆ ಕಾರಣಗಳೇನು ;

(ಉ) ಹಲವು ವಸತಿ ಗೃಹಗಳು ಜೀರ್ಣಾವಸ್ಥೆಯಲ್ಲಿರುವುದರಿಂದ ಅವುಗಳನ್ನು ತೆರವುಗೊಳಿಸಿ ಹೊಸ ವಸತಿ ಗೃಹಗಳ ನಿರ್ಮಾಣ ಮಾಡುವ ಯೋಜನೆ ಸರ್ಕಾರಕ್ಕಿದೆಯೇ; ? ಇದ್ದಲ್ಲಿ ಅದರ ಬಗ್ಗೆ ವಿವರವಾದ ಮಾಹಿತಿ ನೀಡುವುದು ;